# ಕರ್ನಾಟಕ ವಿಧಾನಸಭೆ

(15ನೇ ವಿಧಾನಸಭೆ)

ಹದಿನೈದನೇ ಅಧಿವೇಶನ

# ಕಾರ್ಯಕಲಾಪಗಳ ಪಟ್ಟಿ

ಗುರುವಾರ, ದಿನಾಂಕ 16ನೇ ಫೆಬ್ರವರಿ, 2023

(ಸಮಯ: ಬೆಳಿಗ್ಗೆ 11.00 ಗಂಟೆಗೆ)

----

## 1. ಪ್ರಶ್ನೋತ್ತರ

ಅ) ಸದನದಲ್ಲಿ ಉತ್ತರಿಸುವ ಪ್ರಶ್ನೆಗಳು : ನಾಲ್ಕನೇ ಪಟ್ಟಿ

ಆ) ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆಗಳು : ನಾಲ್ಕನೇ ಪಟ್ಟಿ

## 2. ರಾಜ್ಯಪಾಲರ ಭಾಷಣಕ್ಕೆ ಸಂಬಂಧಿಸಿದ ವಂದನಾರ್ಪಣಾ ಪ್ರಸ್ತಾವ

"ದಿನಾಂಕ 10ನೇ ಫೆಬ್ರವರಿ, 2023ರಂದು ಶ್ರೀ ಸಿ.ಟಿ. ರವಿ ರವರು ಸೂಚಿಸಿ, ಶ್ರೀ ಪಿ. ರಾಜೀವ್ ರವರು ಅನುಮೋದಿಸಿದ ಕೆಳಕಂಡ ಪ್ರಸ್ತಾವದ ಮೇಲೆ ಮುಂದುವರೆದ ಚರ್ಚೆಗೆ ಸರ್ಕಾರದ ಉತ್ತರ (ನಾಲ್ಕನೇ ದಿನ).

> "ದಿನಾಂಕ 10ನೇ ಫೆಬ್ರವರಿ, 2023 ರಂದು ವಿಧಾನಮಂಡಲದ ಉಭಯ ಸದನಗಳ ಸದಸ್ಯರುಗಳನ್ನುದ್ದೇಶಿಸಿ ದಯಪಾಲಿಸಿದ ಭಾಷಣಕ್ಕಾಗಿ ಈ ಅಧಿವೇಶನದಲ್ಲಿ ಸೇರಿರುವ ವಿಧಾನಸಭೆಯ ಸದಸ್ಯರಾದ ನಾವು ಮಾನ್ಯ ರಾಜ್ಯಪಾಲರವರಿಗೆ ಕೃತಜ್ಞತಾಪೂರ್ವಕವಾದ ವಂದನೆಗಳನ್ನು ಸಮರ್ಪಿಸಲು ಅಪ್ಪಣೆ ಕೋರುತ್ತೇವೆ".

## 3. ಶಾಸನ ರಚನೆ

### ವಿಧೇಯಕಗಳನ್ನು ಪರ್ಯಾಲೋಚಿಸುವುದು ಮತ್ತು ಅಂಗೀಕರಿಸುವುದು

1. **ಡಾ. ಸಿ.ಎನ್. ಅಶ್ವಥ್ ನಾರಾಯಣ (ಮಾನ್ಯ ಉನ್ನತ ಶಿಕ್ಷಣ, ಮಾಹಿತಿ ತಂತ್ರಜ್ಞಾನ ಮತ್ತು ಜೈವಿಕ ತಂತ್ರಜ್ಞಾನ, ವಿಜ್ಞಾನ ಮತ್ತು ತಂತ್ರಜ್ಞಾನ ಹಾಗೂ ಕೌಶಲ್ಯಾಭಿವೃದ್ಧಿ ಸಚಿವರು) ಅವರು:-**
   - ಅ) 2022ನೇ ಸಾಲಿನ ಜಿ.ಎಂ. ವಿಶ್ವವಿದ್ಯಾಲಯ ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;
   - ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

2. **ಡಾ. ಸಿ.ಎನ್. ಅಶ್ವಥ್ ನಾರಾಯಣ (ಮಾನ್ಯ ಉನ್ನತ ಶಿಕ್ಷಣ, ಮಾಹಿತಿ ತಂತ್ರಜ್ಞಾನ ಮತ್ತು ಜೈವಿಕ ತಂತ್ರಜ್ಞಾನ, ವಿಜ್ಞಾನ ಮತ್ತು ತಂತ್ರಜ್ಞಾನ ಹಾಗೂ ಕೌಶಲ್ಯಾಭಿವೃದ್ಧಿ ಸಚಿವರು) ಅವರು:-**
   - ಅ) 2022ನೇ ಸಾಲಿನ ಕಿಷ್ಕಿಂದ ವಿಶ್ವವಿದ್ಯಾಲಯ ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;
   - ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

3. **ಡಾ. ಸಿ.ಎನ್. ಅಶ್ವಥ್ ನಾರಾಯಣ (ಮಾನ್ಯ ಉನ್ನತ ಶಿಕ್ಷಣ, ಮಾಹಿತಿ ತಂತ್ರಜ್ಞಾನ ಮತ್ತು ಜೈವಿಕ ತಂತ್ರಜ್ಞಾನ, ವಿಜ್ಞಾನ ಮತ್ತು ತಂತ್ರಜ್ಞಾನ ಹಾಗೂ ಕೌಶಲ್ಯಾಭಿವೃದ್ಧಿ ಸಚಿವರು) ಅವರು:-**
   - ಅ) 2022ನೇ ಸಾಲಿನ ಆಚಾರ್ಯ ವಿಶ್ವವಿದ್ಯಾಲಯ ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;
   - ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

4. **ಡಾ. ಸಿ.ಎನ್. ಅಶ್ವಥ್ ನಾರಾಯಣ (ಮಾನ್ಯ ಉನ್ನತ ಶಿಕ್ಷಣ, ಮಾಹಿತಿ ತಂತ್ರಜ್ಞಾನ ಮತ್ತು ಜೈವಿಕ ತಂತ್ರಜ್ಞಾನ, ವಿಜ್ಞಾನ ಮತ್ತು ತಂತ್ರಜ್ಞಾನ ಹಾಗೂ ಕೌಶಲ್ಯಾಭಿವೃದ್ಧಿ ಸಚಿವರು) ಅವರು:-**
   - ಅ) 2022ನೇ ಸಾಲಿನ ಸಪ್ತಗಿರಿ ಎನ್ ಪಿ ಎಸ್ ವಿಶ್ವವಿದ್ಯಾಲಯ ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;
   - ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

5. **ಡಾ. ಸಿ.ಎನ್. ಅಶ್ವಥ್ ನಾರಾಯಣ (ಮಾನ್ಯ ಉನ್ನತ ಶಿಕ್ಷಣ, ಮಾಹಿತಿ ತಂತ್ರಜ್ಞಾನ ಮತ್ತು ಜೈವಿಕ ತಂತ್ರಜ್ಞಾನ, ವಿಜ್ಞಾನ ಮತ್ತು ತಂತ್ರಜ್ಞಾನ ಹಾಗೂ ಕೌಶಲ್ಯಾಭಿವೃದ್ಧಿ ಸಚಿವರು) ಅವರು:-**
   - ಅ) 2022ನೇ ಸಾಲಿನ ರಾಜ್ಯ ಒಕ್ಕಲಿಗರ ಸಂಘ ವಿಶ್ವವಿದ್ಯಾಲಯ ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;
   - ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

6. **ಡಾ. ಸಿ.ಎನ್. ಅಶ್ವಥ್ ನಾರಾಯಣ (ಮಾನ್ಯ ಉನ್ನತ ಶಿಕ್ಷಣ, ಮಾಹಿತಿ ತಂತ್ರಜ್ಞಾನ ಮತ್ತು ಜೈವಿಕ ತಂತ್ರಜ್ಞಾನ, ವಿಜ್ಞಾನ ಮತ್ತು ತಂತ್ರಜ್ಞಾನ ಹಾಗೂ ಕೌಶಲ್ಯಾಭಿವೃದ್ಧಿ ಸಚಿವರು) ಅವರು:-**
   - ಅ) 2022ನೇ ಸಾಲಿನ ಟಿ. ಜಾನ್ ವಿಶ್ವವಿದ್ಯಾಲಯ ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;
   - ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

..3/

**7.** **ಶ್ರೀ ವಿ. ಸುನಿಲ್ ಕುಮಾರ್ (ಮಾನ್ಯ ಇಂಧನ ಹಾಗೂ ಕನ್ನಡ ಮತ್ತು ಸಂಸ್ಕೃತಿ ಸಚಿವರು) ಅವರು:-**

ಅ) 2022ನೇ ಸಾಲಿನ ಕನ್ನಡ ಭಾಷಾ ಸಮಗ್ರ ಅಭಿವೃದ್ಧಿ ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

## 4. ಗಮನ ಸೆಳೆಯುವ ಸೂಚನೆಗಳು

1) **ಶ್ರೀ ಕೆ.ಎಸ್. ಲಿಂಗೇಶ್ ಅವರು** – ಬೇಲೂರು ಮತಕ್ಷೇತ್ರದಲ್ಲಿ ಆನೆಗಳ ಹಾವಳಿಯಿಂದ ಉಂಟಾಗುವ ಪ್ರಾಣಹಾನಿ ಹಾಗೂ ಬೆಳೆಹಾನಿ ತಪ್ಪಿಸಲು ಶಾಶ್ವತ ಪರಿಹಾರ ನೀಡುವ ಬಗ್ಗೆ ಮಾನ್ಯ ಮುಖ್ಯಮಂತ್ರಿಯವರ ಗಮನ ಸೆಳೆಯುವುದು.

2) **ಡಾ. ಹೆಚ್.ಡಿ. ರಂಗನಾಥ್ ಅವರು** – ಕುಣಿಗಲ್ ತಾಲ್ಲೂಕಿನಾದ್ಯಂತ ಅಸಮರ್ಪಕ ವಿದ್ಯುತ್ ಸರಬರಾಜಿನಿಂದ ರೈತರಿಗೆ ಹಾಗೂ ವಿದ್ಯಾರ್ಥಿಗಳಿಗೆ ತೊಂದರೆಯಾಗುತ್ತಿರುವ ಬಗ್ಗೆ ಮಾನ್ಯ ಇಂಧನ ಹಾಗೂ ಕನ್ನಡ ಮತ್ತು ಸಂಸ್ಕೃತಿ ಸಚಿವರ ಗಮನ ಸೆಳೆಯುವುದು.

3) **ಶ್ರೀ ಸಿ.ಎಸ್. ಪುಟ್ಟರಾಜು ಅವರು** – ರಾಜ್ಯದಲ್ಲಿನ ಗ್ರಂಥಾಲಯ ಮೇಲ್ವಿಚಾರಕರಿಗೆ ಹಾಗೂ ಉಚ್ಚ ನ್ಯಾಯಾಲಯದ ತೀರ್ಪಿನಂತೆ ಗ್ರಾಮ ಪಂಚಾಯತಿಯ ಗ್ರಂಥಾಲಯ ಮೇಲ್ವಿಚಾರಕರಿಗೆ ಕನಿಷ್ಠ ವೇತನ ನೀಡಲು ಕ್ರಮ ಕೈಗೊಳ್ಳುವ ಬಗ್ಗೆ ಮಾನ್ಯ ಮುಖ್ಯಮಂತ್ರಿಯವರ ಗಮನ ಸೆಳೆಯುವುದು.

4) **ಶ್ರೀ ಟಿ. ರಘುಮೂರ್ತಿ ಅವರು** – ಚಳ್ಳಕೆರೆ ವಿಧಾನಸಭಾ ಕ್ಷೇತ್ರಕ್ಕೆ ಮಾನ್ಯ ಮುಖ್ಯಮಂತ್ರಿಗಳ ವಿಶೇಷ ಅನುದಾನ ಅಡಿಯಲ್ಲಿ ವಿವಿಧ ಇಲಾಖೆಗಳಿಗೆ ಮಂಜೂರಾಗಿರುವ ಹಣವನ್ನು ಆರ್ಥಿಕ ಇಲಾಖೆಯಿಂದ ಬಿಡುಗಡೆ ಮಾಡಲು ವಿಳಂಬವಾಗಿರುವ ಬಗ್ಗೆ ಮಾನ್ಯ ಮುಖ್ಯಮಂತ್ರಿಯವರ ಗಮನ ಸೆಳೆಯುವುದು.

5) **ಶ್ರೀ ಅಭಯ ಪಾಟೀಲ ಅವರು** – ಕೇಂದ್ರ ಸರಕಾರದ ವಶದಲ್ಲಿರುವ ಜಮೀನನ್ನು ಮರಳಿ ಪಡೆದು ಬೆಳಗಾವಿಯಲ್ಲಿ ಐಟಿ ಪಾರ್ಕ್ ಸ್ಥಾಪಿಸುವ ಬಗ್ಗೆ ಮಾನ್ಯ ಮುಖ್ಯಮಂತ್ರಿಯವರ ಗಮನ ಸೆಳೆಯುವುದು.

6) **ಶ್ರೀ ಡಿ.ಕೆ. ಶಿವಕುಮಾರ್ ಅವರು** – ಬೆಂಗಳೂರು ಅಭಿವೃದ್ಧಿ ಪ್ರಾಧಿಕಾರವು ಶಿವರಾಮ ಕಾರಂತ ಬಡಾವಣೆಯನ್ನು ನಿರ್ಮಿಸಲು ಸ್ವಾಧೀನಪಡಿಸಿಕೊಂಡ ಭೂಮಿ, ಬಡಾವಣೆ ನಿರ್ಮಿಸಿರುವ ವಿಸ್ತೀರ್ಣ, ಬಾಕಿ ಉಳಿದಿರುವ ವಿಸ್ತೀರ್ಣ, ಭೂ ಸ್ವಾಧೀನಪಡಿಸಿಕೊಂಡ ರೈತರಿಗೆ ಪ್ರತಿ ಎಕರೆಗೆ ನೀಡಿರುವ ಪರಿಹಾರ ಮೊತ್ತ, ಕಾಮಗಾರಿಯನ್ನು ನಿರ್ವಹಿಸಲು ಗುತ್ತಿಗೆಯನ್ನು ನೀಡಿರುವ ಕಂಪನಿ/ಏಜೆನ್ಸಿ, ಗುತ್ತಿಗೆಯನ್ನು ನೀಡುವಾಗ ಅನುಸರಿಸಿರುವ ಮಾನದಂಡ, ಬಡಾವಣೆಯ ನಿರ್ಮಾಣದ ಹಂತ ಇವುಗಳ ವಿವರ ಹಾಗೂ ಟೆಂಡರ್ ಪ್ರಕ್ರಿಯೆಯಲ್ಲಿ ನಡೆದಿರುವ ಅವ್ಯವಹಾರ ಕುರಿತು ಕ್ರಮ ಕೈಗೊಳ್ಳದಿರುವ ಬಗ್ಗೆ ಮಾನ್ಯ ಮುಖ್ಯಮಂತ್ರಿಯವರ ಗಮನ ಸೆಳೆಯುವುದು.

7) **ಶ್ರೀ ಎನ್.ಹೆಚ್. ಶಿವಶಂಕರ ರೆಡ್ಡಿ ಅವರು** – ಗೌರಿಬಿದನೂರು ತಾಲ್ಲೂಕಿನಲ್ಲಿ ಇತ್ತೀಚೆಗೆ ಅವೈಜ್ಞಾನಿಕವಾಗಿ 15ಕ್ಕೂ ಹೆಚ್ಚು ಬಿಎಂಸಿ ಗಳನ್ನು ಪ್ರಾರಂಭಿಸಿದ್ದು, ಈಗಾಗಲೇ ಸುಮಾರು 35 ವರ್ಷಗಳ ಹಿಂದಿನಿಂದ ಕಾರ್ಯನಿರ್ವಹಿಸುತ್ತಿರುವ ಹಾಲು ಶಿಥಿಲೀಕರಣ ಘಟಕವು ಮುಚ್ಚುವ ಹಂತಕ್ಕೆ ಬಂದಿದ್ದು, ಕೋಟ್ಯಾಂತರ ಆಸ್ತಿ ನಷ್ಟವಾಗುವ ಬಗ್ಗೆ ಮಾನ್ಯ ಸಹಕಾರ ಸಚಿವರ ಗಮನ ಸೆಳೆಯುವುದು.

..4/

8) **ಶ್ರೀ ಯು.ಟಿ. ಅಬ್ದುಲ್ ಖಾದರ್ ಅವರು** – ಮಂಗಳೂರು ತಾಲ್ಲೂಕಿನ ಜೆ.ಬಿ.ಎಫ್. ಕಂಪನಿಯಲ್ಲಿ ಕಾರ್ಯನಿರ್ವಹಿಸುತ್ತಿರುವ ನೌಕರರಿಗೆ ವೇತನ ಹಾಗೂ ಇತರೆ ಸೌಲಭ್ಯಗಳನ್ನು ಕೂಡಲೇ ಒದಗಿಸುವ ಬಗ್ಗೆ ಮಾನ್ಯ ಬೃಹತ್ ಮತ್ತು ಮಧ್ಯಮ ಕೈಗಾರಿಕಾ ಸಚಿವರ ಗಮನ ಸೆಳೆಯುವುದು.

9) **ಶ್ರೀ ಎನ್. ಮಹೇಶ್ ಅವರು** – ಕೊಳ್ಳೇಗಾಲ ವಿಧಾನಸಭಾ ಕ್ಷೇತ್ರದ ಯಳಂದೂರು ಸರ್ಕಾರಿ ಆಸ್ಪತ್ರೆಯನ್ನು 100 ಹಾಸಿಗೆಗಳ ಆಸ್ಪತ್ರೆಯಾಗಿ ಮೇಲ್ದರ್ಜೆಗೇರಿಸಿ ನೂತನ ಕಟ್ಟಡ ನಿರ್ಮಿಸಿ ಅಗತ್ಯವಿರುವ ವೈದ್ಯಕೀಯ ಸಲಕರಣೆಗಳು ಹಾಗೂ ಪೀಠೋಪಕರಣಗಳ ಖರೀದಿಗೆ ಅಗತ್ಯ ಕ್ರಮ ಕೈಗೊಳ್ಳುವ ಬಗ್ಗೆ ಮಾನ್ಯ ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಹಾಗೂ ವೈದ್ಯಕೀಯ ಶಿಕ್ಷಣ ಸಚಿವರ ಗಮನ ಸೆಳೆಯುವುದು.

10) **ಶ್ರೀ ಎ.ಎಸ್. ಪಾಟೀಲ (ನಡಹಳ್ಳಿ) ಮತ್ತು ಶ್ರೀ ಪಿ. ರಾಜೀವ್ ಅವರುಗಳು** – ರಾಜ್ಯದಲ್ಲಿ 1987 ರಿಂದ 1994–95ನೇ ಸಾಲಿನಲ್ಲಿ ಪ್ರಾರಂಭವಾದ ಹಲವು ಬಾಕಿ ಇರುವ ಖಾಸಗಿ ಅನುದಾನ ರಹಿತ ಪ್ರಾಥಮಿಕ ಮತ್ತು ಪ್ರೌಢ ಶಾಲೆಗಳು ಹಾಗೂ ಶಿಕ್ಷಕರನ್ನು ವೇತನ ಅನುದಾನಕ್ಕೆ ಒಳಪಡಿಸುವ ಬಗ್ಗೆ ಮಾನ್ಯ ಪ್ರಾಥಮಿಕ ಮತ್ತು ಪ್ರೌಢ ಶಿಕ್ಷಣ ಹಾಗೂ ಸಕಾಲ ಸಚಿವರ ಗಮನ ಸೆಳೆಯುವುದು.

11) **ಡಾ. ಕೆ. ಅನ್ನದಾನಿ ಅವರು** – ಮಂಡ್ಯ ಜಿಲ್ಲೆಯ ಸಹಕಾರ ಕೇಂದ್ರದ ಮಳವಳ್ಳಿ ತಾಲ್ಲೂಕಿನ ಶಾಖೆಯಲ್ಲಿ 2022–23ನೇ ಸಾಲಿನ ಅಕ್ಟೋಬರ್, ನವೆಂಬರ್ ಹಾಗೂ ಡಿಸೆಂಬರ್ ತಿಂಗಳುಗಳಲ್ಲಿ ಬಿಡುಗಡೆಯಾಗಿರುವ ವಿವಿಧ ಸಾಲಗಳ ಸಂಖ್ಯೆ ಮತ್ತು ಒಟ್ಟು ಮೊತ್ತ ಹಾಗೂ ಇತರೆ ಸ್ವ–ಸಹಾಯ ಸಂಘಗಳಿಗೆ ಸಾಲ ಬಿಡುಗಡೆಯಾಗದಿರುವ ಬಗ್ಗೆ ಮಾನ್ಯ ಸಹಕಾರ ಸಚಿವರ ಗಮನ ಸೆಳೆಯುವುದು.

12) **ಶ್ರೀ ರಾಜಾ ವೆಂಕಟಪ್ಪ ನಾಯಕ್ ಅವರು** – ರಾಯಚೂರು ಜಿಲ್ಲೆಯ ಮಾನ್ವಿ ಮತ್ತು ಸಿರವಾರ ತಾಲ್ಲೂಕುಗಳಲ್ಲಿರುವ ಐತಿಹಾಸಿಕ ಸ್ಮಾರಕ ಶಾಸನಗಳು ಹಾಗೂ ವೀರಗಲ್ಲುಗಳನ್ನು ಸಂರಕ್ಷಿಸಿ ಪ್ರಾಚ್ಯವಸ್ತು ಇಲಾಖೆಯಿಂದ ಅಭಿವೃದ್ಧಿಪಡಿಸಿ, ಸಾರ್ವಜನಿಕರ ವೀಕ್ಷಣೆಗೆ ಅನುಕೂಲ ಮಾಡಿಕೊಡುವ ಬಗ್ಗೆ ಮಾನ್ಯ ಜೀವಿಶಾಸ್ತ್ರ ಮತ್ತು ಪರಿಸರ ಹಾಗೂ ಪ್ರವಾಸೋದ್ಯಮ ಸಚಿವರ ಗಮನ ಸೆಳೆಯುವುದು.

13) **ಶ್ರೀ ಎಂ. ಕೃಷ್ಣಾರೆಡ್ಡಿ ಅವರು** – ಚಿಂತಾಮಣಿಯಲ್ಲಿರುವ ಸರ್ಕಾರಿ ಬಾಲಕರ ಪ್ರಥಮ ದರ್ಜೆ ಕಾಲೇಜು ಮತ್ತು ಸ್ನಾತಕೋತ್ತರ ಕೇಂದ್ರದಲ್ಲಿ ವ್ಯಾಸಂಗ ಮಾಡುತ್ತಿರುವ ವಿದ್ಯಾರ್ಥಿಗಳಿಗೆ ವಿದ್ಯಾರ್ಥಿ ವೇತನವನ್ನು ನೀಡದಿರುವ ಬಗ್ಗೆ ಮಾನ್ಯ ಉನ್ನತ ಶಿಕ್ಷಣ, ಮಾಹಿತಿ ತಂತ್ರಜ್ಞಾನ ಮತ್ತು ಜೈವಿಕ ತಂತ್ರಜ್ಞಾನ, ವಿಜ್ಞಾನ ಮತ್ತು ತಂತ್ರಜ್ಞಾನ ಹಾಗೂ ಕೌಶಲ್ಯಾಭಿವೃದ್ಧಿ ಸಚಿವರ ಗಮನ ಸೆಳೆಯುವುದು.

14) **ಶ್ರೀ ಯಶವಂತರಾಯಗೌಡ ವಿಠ್ಠಲಗೌಡ ಪಾಟೀಲ ಅವರು** – ವಿಜಯಪುರ ಜಿಲ್ಲೆಯಲ್ಲಿರುವ ಶ್ರೀ ಜ್ಞಾನ ಯೋಗಾಶ್ರಮದ ಸಂಸ್ಥಾಪಕರಾದ ಶ್ರೀ ಸಿದ್ದೇಶ್ವರ ಮಹಾಸ್ವಾಮಿಗಳ ಜೀವನ ಚರಿತ್ರೆಯನ್ನು ಶಾಲಾ ಪಠ್ಯ ಪುಸ್ತಕದಲ್ಲಿ ಅಳವಡಿಸುವ ಬಗ್ಗೆ ಮಾನ್ಯ ಪ್ರಾಥಮಿಕ ಮತ್ತು ಪ್ರೌಢ ಶಿಕ್ಷಣ ಹಾಗೂ ಸಕಾಲ ಸಚಿವರ ಗಮನ ಸೆಳೆಯುವುದು.

..5/

15) **ಶ್ರೀ ಈಶ್ವರ್ ಭೀ. ಖಂಡ್ರೆ ಅವರು** – ರಾಜ್ಯದಲ್ಲಿ ನವೀಕರಿಸಬಹುದಾದ ವಿದ್ಯುತ್ ಯೋಜನೆಯನ್ನು ಸಮರ್ಪಕವಾಗಿ ಕಾಲಮಿತಿಯಲ್ಲಿ ಅನುಷ್ಠಾನ ಮಾಡಲು ಭೂ ಪರಿವರ್ತನೆ ಪ್ರಕ್ರಿಯೆಯನ್ನು ಸರಳೀಕರಿಸುವ ಬಗ್ಗೆ ಮಾನ್ಯ ಇಂಧನ ಹಾಗೂ ಕನ್ನಡ ಮತ್ತು ಸಂಸ್ಕೃತಿ ಸಚಿವರ ಗಮನ ಸೆಳೆಯುವುದು.

16) **ಶ್ರೀಯುತರುಗಳಾದ ಹೆಚ್.ಕೆ. ಕುಮಾರಸ್ವಾಮಿ, ಕೆ.ಎಸ್. ಲಿಂಗೇಶ್, ಸುರೇಶ್ ಗೌಡ ಹಾಗೂ ಇತರರು** – ಹಾಸನ ನಗರ ಸಭೆಗೆ ವಿವಿಧ ಗ್ರಾಮಗಳನ್ನು ಸೇರ್ಪಡೆ ಮಾಡಿ ಆದೇಶವಾಗಿದ್ದರೂ ಕೆಲವು ಗ್ರಾಮ ಪಂಚಾಯತಿಗಳಲ್ಲಿ ನಿಯಮಬಾಹಿರವಾಗಿ ಕೋಟ್ಯಾಂತರ ರೂಪಾಯಿ ಬೆಲೆ ಬಾಳುವ ಸಿ.ಎ. ನಿವೇಶನಗಳನ್ನು ವಿವಿಧ ಸಂಘಗಳಿಗೆ ನೀಡಿರುವ ಕುರಿತು ಸಮಗ್ರವಾಗಿ ತನಿಖೆ ಮಾಡಿ ತಪ್ಪಿತಸ್ಥ ಅಧಿಕಾರಿಗಳ ವಿರುದ್ಧ ಕ್ರಮ ಕೈಗೊಳ್ಳುವ ಬಗ್ಗೆ ಮಾನ್ಯ ಮುಖ್ಯಮಂತ್ರಿಯವರ ಗಮನ ಸೆಳೆಯುವುದು.

**ಎಂ.ಕೆ.ವಿಶಾಲಾಕ್ಷಿ**
**ಕಾರ್ಯದರ್ಶಿ**

---

**ವಿಧಾನಸಭೆಯ ಕಾರ್ಯಕಲಾಪಗಳ ಪಟ್ಟಿಯನ್ನು ಅಂತರ್ಜಾಲದ ಈ ವಿಳಾಸದಲ್ಲಿ ಪಡೆದುಕೊಳ್ಳಬಹುದು**
***http://kla.kar.nic.in/assembly/lob/lob.htm***